


# ಕರ್ನಾಟಕ ವಿಧಾನಪರಿಷತ್ತು

## ನೂರ ನಲವತ್ತ ಮೂರನೆಯ ಅಧಿವೇಶನದ ಮುಂದುವರೆದ ಉಪವೇಶನ

**ಚುಕ್ಕೆ ರಹಿತ ಪ್ರಶ್ನೆ**

ದಿನಾಂಕ : 18-03-2021 ಪ್ರಶ್ನೆ ಸಂಖ್ಯೆ : 1404(1551)

ಸದಸ್ಯರ ಹೆಸರು ಮತ್ತು ಕ್ಷೇತ್ರ : ಶ್ರೀ ನಸೀರ್ ಅಹ್ಮದ್(ವಿಧಾನಸಭೆಯಿಂದ ಚುನಾಯಿತರಾದವರು)

ಉತ್ತರ ನೀಡಬೇಕಾದ ದಿನಾಂಕ : 18-03-2021

ಉತ್ತರಿಸುವ ಸಚಿವರು: ಮಾನ್ಯ ಮುಖ್ಯಮಂತ್ರಿಗಳು

ವಿಷಯ : ಲೋಕಾಯುಕ್ತ ಟ್ರ್ಯಾಪ್‌ಗೆ ಒಳಪಟ್ಟ ಅಧಿಕಾರಿ ಮತ್ತು ಸಿಬ್ಬಂದಿಗಳ ವಿವರ ನೀಡುವ ಬಗ್ಗೆ

(ಅ) ವಾಣಿಜ್ಯ ತೆರಿಗೆ ಇಲಾಖೆಯಲ್ಲಿ 2008 ರಿಂದ ಇಂದಿನವರೆಗೆ ಎಷ್ಟು ಅಧಿಕಾರಿಗಳು ಮತ್ತು ಸಿಬ್ಬಂದಿ ವರ್ಗದವರು ಲೋಕಾಯುಕ್ತ ಟ್ರ್ಯಾಪ್‌ಗೆ ಒಳಪಟ್ಟು ವಿಶೇಷ ನ್ಯಾಯಾಲಯಗಳಲ್ಲಿ ಶಿಕ್ಷೆಗೆ ಗುರಿಯಾಗಿದ್ದಾರೆ; ಅಂತಹ ಅಧಿಕಾರಿ ಮತ್ತು ಸಿಬ್ಬಂದಿ ವರ್ಗದವರ ಹೆಸರು, ಹುದ್ದೆಯ ವಿವರ ಜಿಲ್ಲಾವಾರು ಒದಗಿಸುವುದು;

(ಆ) ಲೋಕಾಯುಕ್ತ ಟ್ರ್ಯಾಪ್‌ಗೆ ಒಳಪಟ್ಟು ವಿಶೇಷ ನ್ಯಾಯಾಲಯಗಳಿಂದ ಶಿಕ್ಷೆಗೊಳಪಟ್ಟ ಎಷ್ಟು ಅಧಿಕಾರಿ ಮತ್ತು ಸಿಬ್ಬಂದಿ ವರ್ಗದವರನ್ನು ಸೇವೆಯಿಂದ ವಜಾ ಮಾಡಲಾಗಿದೆ; ಅಂತಹ ಅಧಿಕಾರಿ ಮತ್ತು ಸಿಬ್ಬಂದಿ ವರ್ಗದವರ ಹೆಸರು, ಹುದ್ದೆಯ ವಿವರ ಜಿಲ್ಲಾವಾರು ಒದಗಿಸುವುದು;

(ಇ) ವಿಶೇಷ ನ್ಯಾಯಾಲಯಗಳಿಂದ ಶಿಕ್ಷೆಗೆ ಗುರಿಯಾದ ಎಷ್ಟು ಅಧಿಕಾರಿ ಮತ್ತು ಸಿಬ್ಬಂದಿ ವರ್ಗದವರು ಮಾನ್ಯ ಉಚ್ಛ ನ್ಯಾಯಾಲಯದಲ್ಲಿ ಅಪೀಲು ಸಲ್ಲಿಸಿ ಜಾಮೀನು ಪಡೆದು ಸೇವೆಯಲ್ಲಿ ಮುಂದುವರೆದಿದ್ದಾರೆ; ಅಂತಹ ಅಧಿಕಾರಿ ಮತ್ತು ಸಿಬ್ಬಂದಿ ವರ್ಗದವರ ವಿವರ ಜಿಲ್ಲಾವಾರುಒದಗಿಸುವುದು;

(ಈ) ವಿಶೇಷ ನ್ಯಾಯಾಲಯ ನೀಡಿದ ಶಿಕ್ಷೆ ವಿರುದ್ಧ ಮಾನ್ಯ ಉಚ್ಛ ನ್ಯಾಯಾಲಯದಲ್ಲಿ ಅಪೀಲು ಮಾಡಿಕೊಂಡು ಜಾಮೀನು ಪಡೆದುಕೊಂಡ ಮಾತ್ರಕ್ಕೆ ಅಂತಹ ಅಧಿಕಾರಿ ಮತ್ತು ಸಿಬ್ಬಂದಿ ವರ್ಗದವರನ್ನು ಸೇವೆಯಲ್ಲಿ ಮುಂದುವರೆಸಲು ಕಾನೂನಿನಲ್ಲಿ ಅವಕಾಶ ಇದೆಯೇ; ಇದ್ದರೆ, ಅಂತಹ ಅಧಿಕಾರಿ ಮತ್ತು ಸಿಬ್ಬಂದಿ ವರ್ಗದವರ ವಿವರ ಜಿಲ್ಲಾವಾರು ಒದಗಿಸುವುದು?